# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 172

ವಿಧಾನ ಪರಿಷತ್ ಸದಸ್ಯರ ಹೆಸರು : ಶ್ರೀ ಎಂ.ಎ ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳಿಂದ ಚುನಾಯಿತರಾದವರು)

ಉತ್ತರಿಸುವವರು : ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರು

ಉತ್ತರಿಸಬೇಕಾದ ದಿನಾಂಕ : 14.12.2021

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಪಟ್ಟಣ ಹಾಗೂ ಗ್ರಾಮೀಣ ಪ್ರದೇಶಗಳಲ್ಲಿ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರವು ರೂಪಿಸಿರುವ ಯೋಜನೆಗಳು ಯಾವುವು; ಈ ಯೋಜನೆಗಳಡಿ ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಯಲ್ಲಿ ಸ್ಥಾಪನೆಯಾದ ಸಣ್ಣ ಕೈಗಾರಿಕೆಗಳಾವುವು; (ಮಾಹಿತಿಯೊಂದಿಗೆ ಆದೇಶದ ಪ್ರತಿಯನ್ನು ನೀಡುವುದು) | **ರಾಜ್ಯದ ಪಟ್ಟಣ ಹಾಗೂ ಗ್ರಾಮೀಣ ಪ್ರದೇಶಗಳಲ್ಲಿ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರವು ರೂಪಿಸಿರುವ ಯೋಜನೆಗಳು ಈ ಕೆಳಗಿನಂತಿವೆ.**<br><br>1. **ಕೇಂದ್ರ ಸರ್ಕಾರದ ಪ್ರಧಾನಮಂತ್ರಿಗಳ ಉದ್ಯೋಗ ಸೃಜನ ಯೋಜನೆಯಡಿ** ನಗರ ಮತ್ತು ಗ್ರಾಮೀಣ ಪ್ರದೇಶಗಳಲ್ಲಿ ಕೈಗಾರಿಕೆಗಳನ್ನು ಸ್ಥಾಪಿಸಲು ಗರಿಷ್ಠ ಸಾಲ ರೂ. 25 ಲಕ್ಷಗಳವರೆಗೆ ಬ್ಯಾಂಕ್‌ಗಳ ಮೂಲಕ ಸಾಲ ಸೌಲಭ್ಯ ಒದಗಿಸಿ ಸಣ್ಣ ಉದ್ಯಮಗಳನ್ನು ಸ್ಥಾಪಿಸಿ ಸ್ವಯಂ ಉದ್ಯೋಗ ಕೈಗೊಳ್ಳಲು ಅನುಕೂಲ ಒದಗಿಸಲಾಗುವುದು ಹಾಗೂ ಯೋಜನಾ ವೆಚ್ಚದ ಮೇಲೆ ಶೇ. 15 ರಿಂದ ಶೇ.35 ರವರೆಗೆ ಗರಿಷ್ಠ ರೂ.3.75 ಲಕ್ಷದಿಂದ ರೂ.8.75 ಲಕ್ಷದವರೆಗೆ ಸಹಾಯಧನ ನೀಡಲಾಗುತ್ತಿದೆ.<br><br>2. ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಸೂಕ್ಷ್ಮ ಮತ್ತು ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ರೂ.5.00 ಕೋಟಿಗಳವರೆಗೆ ಸಾಲ ಪಡೆದು ನಿಗದಿತ ಸಮಯದಲ್ಲಿ ಮರುಪಾವತಿ ಮಾಡಿದ ಅತಿ ಸಣ್ಣ ಮತ್ತು ಸಣ್ಣ ಕೈಗಾರಿಕಾ ಘಟಕಗಳಿಗೆ 5 ವರ್ಷಗಳ ಅವಧಿಗೆ ಶೇಕಡ 6 ರಂತೆ ಬಡ್ಡಿ ಸಹಾಯಧನ ನೀಡಲಾಗುವುದು.<br><br>3. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪ ಯೋಜನೆಯಡಿಯಲ್ಲಿ ಶೇ 75 ರಿಯಾಯಿತಿ ದರದಲ್ಲಿ ಕೈಗಾರಿಕಾ ನಿವೇಶನಗಳನ್ನು (ಗರಿಷ್ಠ 2 ಎಕರೆ) ಮತ್ತು ಕೈಗಾರಿಕಾ ಶೆಡ್‌ಗಳನ್ನು ನೀಡಲಾಗುತ್ತಿದೆ.<br><br>4. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಸ್ವಯಂ ಉದ್ಯೋಗ ಕೈಗೊಳ್ಳಲು ಬ್ಯಾಂಕಿನಿಂದ ಸಾಲ ಒದಗಿಸಿ ಯೋಜನಾ ವೆಚ್ಚದ ಮೇಲೆ ಶೇ 60 ರಷ್ಟು ಗರಿಷ್ಠ ರೂ.5.00 ಲಕ್ಷ ಸಹಾಯಧನ ನೀಡಲಾಗುತ್ತಿದೆ.<br><br>5. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಮೊದಲ ಪೀಳಿಗೆಯ ಉದ್ಯಮಿದಾರರು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಪಡೆದು ಸ್ಥಾಪಿಸುವ ಹೊಸ ಘಟಕಗಳಿಗೆ ಗರಿಷ್ಠ ರೂ.5.00 ಕೋಟಿ ಯೋಜನಾ ವೆಚ್ಚದಲ್ಲಿ The Debt Equity Ratio 2:1 ಪ್ರಕಾರ (2/3 ರಷ್ಟು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಮತ್ತು 1/3 ಪ್ರವರ್ತಕರ ಬಂಡವಾಳ) ಘಟಕಕ್ಕೆ ಪ್ರವರ್ತಕ ಬಂಡವಾಳ ಹೂಡಿಕೆಯ 1/3 ರಲ್ಲಿ ಶೇ.50 ರಷ್ಟು ಬಡ್ಡಿರಹಿತ ಗರಿಷ್ಠ ರೂ.75 ಲಕ್ಷ ಸಾಫ್ಟ್ ಸೀಡ್ ಕ್ಯಾಪಿಟಲ್ ಆರ್ಥಿಕ ಸಹಾಯ ನೀಡಲಾಗುತ್ತಿದೆ.<br><br>6. ದಿನಾಂಕ:01-04-2017 ರಿಂದ ಮೊದಲ ಬಾರಿಗೆ ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡದವರು ಸ್ಥಾಪಿಸುವ ಸಣ್ಣ ಮತ್ತು ಅತೀ ಸಣ್ಣ ಘಟಕಗಳು ಸಾಲ ಪಡೆಯುವ ಸಂದರ್ಭದಲ್ಲಿ ಕೆಎಸ್.ಎಫ್.ಸಿ ಮತ್ತು ಇತರೇ ಹಣಕಾಸು ಸಂಸ್ಥೆಯವರು |